ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ಸೋಮವಾರ, ದಿನಾಂಕ: 23ನೇ ಮಾರ್ಚ್, 2020

2020-2021ನೇ ಸಾಲಿನಲ್ಲಿ I.I.I.T. ಪ್ರವೇಶಾತಿ ಪ್ರಾರಂಭಿಸುವ ಕುರಿತು

ಶ್ರೀ ಎನ್.ಎಸ್. ಬೋಸ್‌ರಾಜು (ವಿಧಾನಸಭೆಯಿಂದ ಚುನಾಯಿತರಾದವರು):-

1431 (1713) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಉನ್ನತ ಶಿಕ್ಷಣ, ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ, ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಯಚೂರಿನಲ್ಲಿರುವ ಪಿ.ಜಿ. ಕೇಂದ್ರವನ್ನು ಯಾವ ವರ್ಷದಲ್ಲಿ ಪ್ರಾರಂಭಿಸಲಾಗಿದೆ ; ಇದಕ್ಕೆ ಎಷ್ಟು ಎಕರೆ ಜಾಗ ನೀಡಲಾಗಿದೆ ; ಸದರಿ ಪಿ.ಜಿ. ಕೇಂದ್ರಕ್ಕೆ ನೀಡಿರುವ ಮೂಲಭೂತ ಸೌಲಭ್ಯಗಳೇನು;

(ಆ) 2017-18 ಹಾಗೂ 2018-19ನೇ ಸಾಲಿನ ಶೈಕ್ಷಣಿಕ ವರ್ಷದಲ್ಲಿ ಪದವಿ ವಿದ್ಯಾರ್ಥಿಗಳಿಗೆ ಲ್ಯಾಪ್‌ಟ್ಯಾಪ್ ವಿತರಿಸಲು ಸರ್ಕಾರ ತೆಗೆದುಕೊಂಡ ಕ್ರಮಗಳೇನು ;

(ಇ) ರಾಯಚೂರಿನಲ್ಲಿ ಉದ್ದೇಶಿಸಿರುವ ನೂತನ ವಿಶ್ವವಿದ್ಯಾಲಯಕ್ಕೆ ಎಷ್ಟು ಎಕರೆ ಜಾಗ ಗುರುತಿಸಲಾಗಿದೆ ; ಸದರಿ ವಿಶ್ವವಿದ್ಯಾಲಯ ಪ್ರಾರಂಭಿಸಲು ಬೇಕಾಗಿರುವ ಅನುದಾನವನ್ನು ಒದಗಿಸಲು ಸರ್ಕಾರ ತೆಗೆದುಕೊಂಡ ಕ್ರಮಗಳೇನು ;

(ಈ) ರಾಯಚೂರಿನಲ್ಲಿ I.I.I.T. 2020-2021ನೇ ಸಾಲಿನಲ್ಲಿ ಪ್ರವೇಶ ಪ್ರಾರಂಭಿಸಲು ಸರ್ಕಾರ ತೆಗೆದುಕೊಂಡ ಕ್ರಮಗಳೇನು ; ಇದಕ್ಕೆ ಬೇಕಾಗಿರುವ ಮೂಲಭೂತ ಸೌಕರ್ಯಗಳನ್ನು ಒದಗಿಸಲು ಸರ್ಕಾರ ನೀಡಿರುವ ಅನುದಾನ ಎಷ್ಟು ; ಇದರಲ್ಲಿ ಸ್ಥಳೀಯ ವಿದ್ಯಾರ್ಥಿಗಳಿಗೆ ಪ್ರವೇಶಾತಿ ನೀಡಲು ಸರ್ಕಾರ ತೆಗೆದುಕೊಂಡ ಕ್ರಮಗಳೇನು ?